ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ : 07 ನೇ ಡಿಸೆಂಬರ್, 2020

ಅನುದಾನಿತ ಶಿಕ್ಷಣ ಸಂಸ್ಥೆಗಳಲ್ಲಿ ಖಾಲಿ ಹುದ್ದೆಗಳನ್ನು ಭರ್ತಿ ಮಾಡುವ ಬಗ್ಗೆ

ಶ್ರೀ ಕೆ. ಟಿ. ಶ್ರೀಕಂಠೇಗೌಡ(ಪದವೀಧರರ ಕ್ಷೇತ್ರ) –

68 (24) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ರಾಜ್ಯದ ಅನುದಾನಿತ ಶಿಕ್ಷಣ ಸಂಸ್ಥೆಗಳಲ್ಲಿ ನಿವೃತ್ತಿ, ನಿಧನ, ರಾಜೀನಾಮೆ ಕಾರಣಗಳಿಂದ ತೆರವಾದ ಹುದ್ದೆಗಳು ಖಾಲಿ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಆರ್ಥಿಕ ಇಲಾಖೆಯು ಆರ್ಥಿಕ ಮಿತವ್ಯಯ ಕಾರಣ ನೀಡಿ ನೇಮಕಾತಿಯನ್ನು ತಡೆಹಿಡಿಯುವಂತೆ ಆದೇಶ ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಇದರಿಂದ ಅನುದಾನಿತ ಶಿಕ್ಷಣ ಸಂಸ್ಥೆಗಳಲ್ಲಿ ಮಕ್ಕಳ ಪರೀಕ್ಷೆಯ ಫಲಿತಾಂಶಗಳು ಕುಂಠಿತವಾಗುತ್ತಿರುವುದು ಸರ್ಕಾರದ ಗಮನದಲ್ಲಿದೆಯೇ;

(ಈ) ಹಾಗಿದ್ದಲ್ಲಿ, ಈ ಖಾಲಿ ಹುದ್ದೆಗಳನ್ನು ತುಂಬಲು ಸರ್ಕಾರ ಆದೇಶ ಹೊರಡಿಸುವುದು ಯಾವಾಗ? (ವಿವರ ನೀಡುವುದು)